ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 20 ನೇ ಮಾರ್ಚ್, 2020

ಗ್ರಾಮ ಸಭೆಗೆ ಅಧಿಕಾರಿಗಳು ಹಾಜರಾಗದೆ ಇರುವ ಬಗ್ಗೆ

ಶ್ರೀ ಆರ್. ಪ್ರಸನ್ನಕುಮಾರ್(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

209 (1570) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಗ್ರಾಮ ಪಂಚಾಯಿತಿಯ ವಿವಿಧ ಗ್ರಾಮ ಸಭೆಗಳಿಗೆ ಪಂಚಾಯತ್ ಅಭಿವೃದ್ಧಿ ಅಧಿಕಾರಿಯು ಗ್ರಾಮಪಂಚಾಯತ್ ವ್ಯಾಪ್ತಿಗೆ ಬರುವ ಸಂಬಂಧಪಟ್ಟ ಇಲಾಖೆಯ ಅಧಿಕಾರಿಗಳಿಗೆ ಸಭೆಗೆ ಹಾಜರಾಗುವಂತೆ ನೋಟಿಸ್ ಮೂಲಕ ಆಹ್ವಾನಿಸುತ್ತಿದ್ದರು ಸಹ ಅಧಿಕಾರಿಗಳು ಸಭೆಗೆ ಹಾಜರಾಗದೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಅಧಿಕಾರಿಗಳು ಗ್ರಾಮ ಸಭೆಗಳಿಗೆ ಹಾಜರಾಗದೆ ಇರುವುದರಿಂದ ಗ್ರಾಮ ಮಟ್ಟದ ವಿವಿಧ ಅಭಿವೃದ್ಧಿ ಕಾಮಗಾರಿಗಳ ರೂಪು ರೇಷೆಗಳನ್ನು ಸಮರ್ಪಕವಾಗಿ ಸಿದ್ದಪಡಿಸಲು ವಿಫಲವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಇ) ಬಂದಿದ್ದಲ್ಲಿ, ಈ ಕುರಿತು ಸರ್ಕಾರ ಕೈಗೊಂಡ ಕ್ರಮಗಳೇನು ?